


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 18-03-2021 ಪ್ರಶ್ನೆ ಸಂಖ್ಯೆ : 1373(1617)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಪಿ. ಆರ್. ರಮೇಶ್(ನಾಮನಿರ್ದೇಶನ ಹೊಂದಿದವರು )

ಉತ್ತರ ನೀಡಬೇಕಾದ ದಿನಾಂಕ : 18-03-2021

ಉತ್ತರಿಸುವ ಸಚಿವರು: ಮಾನ್ಯ ಮುಖ್ಯಮಂತ್ರಿಗಳು

ವಿಷಯ : ನಮ್ಮ ಮೆಟ್ರೋ ರೈಲು ನಿರ್ಮಾಣದ ಕುರಿತು

(ಅ) ಬೆಂಗಳೂರು - ಮೈಸೂರು ಹೆದ್ದಾರಿಯಲ್ಲಿ ನಿರ್ಮಾಣವಾಗುತ್ತಿರುವ ನಮ್ಮ ಮೆಟ್ರೋ ರೈಲು ಸೇವೆಯನ್ನು ಯಾವ ದಿನಾಂಕದಿಂದ ಸಾರ್ವಜನಿಕ ಸಂಚಾರಕ್ಕೆ ಚಾಲನೆ ನೀಡಲು ಸರ್ಕಾರ ಚಿಂತಿಸಿದೆ; (ವಿವರ ನೀಡುವುದು)

(ಆ) ಈ ರಸ್ತೆಯಲ್ಲಿ ನಮ್ಮ ಮೆಟ್ರೋ ರೈಲು ಸಂಚಾರಕ್ಕೆ ಕಟ್ಟಡಗಳ ನಿರ್ಮಾಣಕ್ಕಾಗಿ ಆರ್.ವಿ. ಇಂಜಿನೀಯರಿಂಗ್ ಕಾಲೇಜ್ ಪಕ್ಕದಲ್ಲಿ ಪಟ್ಟಣಗೆರೆಗೆ ಹೋಗುವ ಮುಖ್ಯ ರಸ್ತೆಯ ತಿರುವನ್ನು (Cross/Space Between Pillars) ಅನಧಿಕೃತವಾಗಿ ಮುಚ್ಚಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಸದರಿ ಕಾರ್ಯದಿಂದ ಕೆಂಗೇರಿ/ದುಬಾಸ್ ಪಾಳ್ಯದ ಕಡೆಯಿಂದ ಬರುವ, ಪಟ್ಟಣಗೆರೆಗೆ ಹೋಗುವ ಸಾರ್ವಜನಿಕರಿಗೆ ಸಂಚಾರ ನಡೆಸಲು ತೊಂದರೆಯ ನಿವಾರಣೆ ಕುರಿತು ಸರ್ಕಾರದ ಕ್ರಮವೇನು; (ವಿವರ ನೀಡುವುದು)

(ಇ) ನಮ್ಮ ಮೆಟ್ರೋ ರೈಲು ನಿಲ್ದಾಣಗಳಲ್ಲಿ ಬಹಳಷ್ಟು ಸಂಖ್ಯೆಯ ಖಾಸಗಿ ಭದ್ರತಾ ಸಿಬ್ಬಂದಿಗಳು ಉತ್ತರ ಭಾರತದವರಿದ್ದು, ಇವರಿಂದ ಸ್ಥಳೀಯರಿಗೆ ಪ್ರಮುಖವಾಗಿ ಹಿಂದಿ ಭಾಷೆಯನ್ನು ಅರಿಯದವರಿಗೆ ತೊಂದರೆಯಾಗುತ್ತಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರದ ಕ್ರಮವೇನು? (ವಿವರ ನೀಡುವುದು)